ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಗುರುವಾರ, ದಿನಾಂಕ : 10 ನೇ ಡಿಸೆಂಬರ್, 2020

ಸಮುದ್ರ ಸೇರಿ ಪೋಲಾಗುತ್ತಿರುವ ಕೃಷ್ಣಾ ನದಿಯ ಲಕ್ಷಾಂತರ ಕ್ಯೂಸೆಕ್ಸ್ ನೀರನ್ನು ಸದ್ಬಳಕೆ ಮಾಡಿಕೊಳ್ಳುವ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ್ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) –

314 (325) ಮಾನ್ಯ ಜಲಸಂಪನ್ಮೂಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ದಕ್ಷಿಣ ಭಾರತದ ಪ್ರಮುಖ ನದಿಯಾಗಿರುವ ಕೃಷ್ಣಾ ನದಿಯ ಲಕ್ಷಾಂತರ ಕ್ಯೂಸೆಕ್ಸ್ ನೀರು ಸದ್ಬಳಕೆಯಾಗದೆ ಆಂಧ್ರ ಪ್ರದೇಶ ಹಾಗೂ ಸಮುದ್ರದ ಪಾಲಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಹಾಗಿದ್ದಲ್ಲಿ, ರಾಜ್ಯದ ಕೃಷ್ಣಾ ನದಿಯ ಸಂಪೂರ್ಣ ಪಾಲನ್ನು ಮತ್ತು ಸಮುದ್ರ ಸೇರಿ ಪೋಲಾಗುತ್ತಿರುವ ಲಕ್ಷಾಂತರ ಕ್ಯೂಸೆಕ್ಸ್ ನೀರನ್ನು ಸದ್ಬಳಕೆ ಮಾಡಿಕೊಳ್ಳಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು;

(ಇ) ಮಹಾರಾಷ್ಟ್ರದಲ್ಲಿ ಮತ್ತು ಆಂಧ್ರಪ್ರದೇಶಗಳಲ್ಲಿ ಕೃಷ್ಣಾ ನದಿಗೆ ಎಲ್ಲೆಲ್ಲಿ ಎಷ್ಟು ಜಲಾಶಯಗಳನ್ನು ನಿರ್ಮಿಸಲಾಗಿದೆ; ಆ ಜಲಾಶಯಗಳಲ್ಲಿ ಎಷ್ಟು ಪ್ರಮಾಣದ ನೀರನ್ನು ಸಂಗ್ರಹಿಸಲಾಗುತ್ತಿದೆ; ಹಾಗೂ ಎಷ್ಟು ಹೆಕ್ಟೇರ್ ಪ್ರದೇಶ ನೀರಾವರಿಗೆ ಒಳಪಟ್ಟಿದೆ; (ವಿವರ ಒದಗಿಸುವುದು)

(ಈ) ಪ್ರತಿ ವರ್ಷ ಜೂನ್‌ನಿಂದ ಸೆಪ್ಟೆಂಬರ್‌ವರೆಗೆ ಯಾವ ಯಾವ ರಾಜ್ಯಗಳಲ್ಲಿ ಎಷ್ಟು ಪ್ರಮಾಣದ ನೀರು ಹರಿಯುತ್ತದೆ; ಯಾವ ಯಾವ ರಾಜ್ಯಗಳಲ್ಲಿ ಎಷ್ಟು ಪ್ರಮಾಣದ ನೀರು ಸದ್ಬಳಕೆಯಾಗುತ್ತಿದೆ; (ವಿವರ ಒದಗಿಸುವುದು)

(ಉ) ಪ್ರತಿ ವರ್ಷ ಜೂನ್‌ನಿಂದ ಅಕ್ಟೋಬರ್‌ವರೆಗೆ ಎಷ್ಟು ಕ್ಯೂಸೆಕ್ಸ್ ನೀರು ಸಮುದ್ರ ಸೇರುತ್ತಿದೆ;

(ಊ) ಸಮುದ್ರದ ಪಾಲಾಗುತ್ತಿರುವ ಈ ಲಕ್ಷಾಂತರ ಕ್ಯೂಸೆಕ್ಸ್ ನೀರನ್ನು ಸದ್ಬಳಕೆ ಮಾಡಿಕೊಳ್ಳಲು ಸರ್ಕಾರ ಯಾವ ಯೋಜನೆಗಳನ್ನು ಹಾಕಿಕೊಂಡಿದೆ? (ವಿವರ ಒದಗಿಸುವುದು)